# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1621

ಉತ್ತರಿಸಬೇಕಾದ ದಿನಾಂಕ : 20.03.2020

ಸದಸ್ಯರ ಹೆಸರು : ಶ್ರೀ ಎನ್. ಎಸ್. ಬೋಸ್ ರಾಜು (ವಿಧಾನ ಸಭೆಯಿಂದ ಚುನಾಯಿತರಾದವರು)

ಉತ್ತರಿಸುವ ಸಚಿವರು : ಮಾನ್ಯ ಪ್ರವಾಸೋದ್ಯಮ ಮತ್ತು ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು

| ಕ್ರ ಸ | ಪ್ರಶ್ನೆ | ಉತ್ತರ |
|---|---|---|
| ಅ) | ರಾಯಚೂರು ಜಿಲ್ಲೆಯಲ್ಲಿ ಕ್ರೀಡಾಂಗಣಗಳನ್ನು ಅಭಿವೃದ್ಧಿಪಡಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು? | ರಾಯಚೂರು ಜಿಲ್ಲೆಯಲ್ಲಿ ಕ್ರೀಡಾಂಗಣಗಳನ್ನು ಅಭಿವೃದ್ಧಿಪಡಿಸಲು ಕೆಳಕಾಣಿಸಿದ ಕ್ರಮಗಳನ್ನು ಕೈಗೊಳ್ಳಲಾಗಿದೆ.<br>1. ರಾಯಚೂರು ಜಿಲ್ಲಾ ಕ್ರೀಡಾಂಗಣದ ಪ್ರೇಕ್ಷಕರ ಗ್ಯಾಲರಿ ಮತ್ತು ಪೆವಿಲಿಯನ್ ಕಟ್ಟಡ ಕಾಮಗಾರಿಗಳನ್ನು ಪೂರ್ಣಗೊಳಿಸಲಾಗಿದೆ. ಲಾನ್ ಟೆನ್ನಿಸ್, ಬ್ಯಾಸ್ಕೆಟ್ ಬಾಲ್ ಅಂಕಣ, ಒಳಾಂಗಣ ಕ್ರೀಡಾಂಗಣ ನಿರ್ಮಾಣ ಹಾಗೂ ಈಜುಕೊಳದ ನವೀಕರಣ ಕಾರ್ಯ ಕೈಗೆತ್ತಿಕೊಳ್ಳಲಾಗಿದ್ದು, ಕಾಮಗಾರಿ ಪ್ರಗತಿಯಲ್ಲಿರುತ್ತದೆ.<br>2. ಸಿಂಧನೂರು ತಾಲ್ಲೂಕು ಕ್ರೀಡಾಂಗಣದ ಪಶ್ಚಿಮ ಮತ್ತು ವಾಯವ್ಯ ದಿಕ್ಕಿನ ಪ್ರೇಕ್ಷಕರ ಗ್ಯಾಲರಿ ನಿರ್ಮಾಣ ಕಾರ್ಯವನ್ನು ಪೂರ್ಣಗೊಳಿಸಲಾಗಿದೆ. 2ನೇ ಹಂತದಲ್ಲಿ ಪೂರ್ವ ಭಾಗದ ಪ್ರೇಕ್ಷಕರ ಗ್ಯಾಲರಿ ನಿರ್ಮಾಣ, ಅಥ್ಲೆಟಿಕ್ಸ್ ಟ್ರ್ಯಾಕ್ ನಿರ್ಮಾಣ ಮತ್ತಿತರ ಕಾಮಗಾರಿಗಳು ಪ್ರಗತಿಯಲ್ಲಿವೆ.<br>3. ಲಿಂಗಸುಗೂರಿನಲ್ಲಿ ಹೊರಾಂಗಣ ಕ್ರೀಡಾಂಗಣ ನಿರ್ಮಾಣಕ್ಕೆ ಕಲ್ಯಾಣ-ಕರ್ನಾಟಕ ಪ್ರದೇಶಾಭಿವೃದ್ಧಿ ಮಂಡಳಿಯಿಂದ ರೂ 200.00 ಲಕ್ಷ ಅನುದಾನ ಹಂಚಿಕೆಯಾಗಿದ್ದು, ದಿನಾಂಕ: 08-03-2020 ರಂದು ಕ್ರೀಡಾಂಗಣ ನಿರ್ಮಾಣ ಕಾರ್ಯದ ಶಂಕುಸ್ಥಾಪನೆ ನೆರವೇರಿಸಲಾಗಿದೆ.<br>4. ದೇವದುರ್ಗದಲ್ಲಿ ತಾಲ್ಲೂಕು ಕ್ರೀಡಾಂಗಣದ ನೆಲಸಮತಟ್ಟು ಕಾರ್ಯ ಹಾಗೂ ಪೆವಿಲಿಯನ್ ಕಟ್ಟಡ ನಿರ್ಮಾಣ ಕಾಮಗಾರಿ ಪೂರ್ಣಗೊಂಡಿದೆ.<br>5. ಮಾನ್ವಿ ಮತ್ತು ಸಿರವಾರಗಳಲ್ಲಿ ಕ್ರೀಡಾಂಗಣಗಳನ್ನು ನಿರ್ಮಿಸಲು ನಿವೇಶನವನ್ನು ಗುರುತಿಸಲು ಕ್ರಮ ವಹಿಸಲಾಗುತ್ತಿದೆ. |

| | | |
|---|---|---|
| ಆ) | ರಾಯಚೂರು ನಗರದಲ್ಲಿ ಕ್ರೀಡಾ ತರಬೇತಿ ಹಾಗೂ ಕ್ರೀಡಾ ವಸತಿ ಶಾಲೆ ನಿರ್ಮಾಣ ಮಾಡಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು? | ರಾಯಚೂರು ಜಿಲ್ಲೆಯ ಪ್ರತಿಭಾವಂತ ಕ್ರೀಡಾಪಟುಗಳಿಗೆ ಕ್ರೀಡಾ ತರಬೇತಿಯನ್ನು ನೀಡಲು ರಾಯಚೂರು ಪಟ್ಟಣದಲ್ಲಿ ಜಿಲ್ಲಾ ಕ್ರೀಡಾ ವಸತಿ ನಿಲಯವನ್ನು ಸ್ಥಾಪಿಸಲಾಗಿದ್ದು, ಫುಟ್ ಬಾಲ್ ಮತ್ತು ಹಾಕಿ ಕ್ರೀಡೆಗಳಲ್ಲಿ ತರಬೇತಿಯನ್ನು ನೀಡಲಾಗುತ್ತಿದೆ. ರಾಯಚೂರು ಕ್ರೀಡಾ ವಸತಿ ನಿಲಯದಲ್ಲಿನ ಮಹಿಳಾ ಕ್ರೀಡಾಪಟುಗಳಿಗಾಗಿ ರೂ 150.00 ಲಕ್ಷ ವೆಚ್ಚದಲ್ಲಿ ವಸತಿ ನಿಲಯ ಕಟ್ಟಡವನ್ನು ನಿರ್ಮಿಸಲು ಸರ್ಕಾರವು ಆಡಳಿತಾತ್ಮಕ ಅನುಮೋದನೆ ನೀಡಿರುತ್ತದೆ. |
| ಇ | ಪ್ರಸ್ತುತ ರಾಯಚೂರು ನಗರದಲ್ಲಿ ಯಾವ ಕ್ರೀಡೆಗಳಿಗೆ ಪ್ರೋತ್ಸಾಹಿಸಲು ಮೂಲಭೂತ ಸೌಕರ್ಯಗಳನ್ನು ಒದಗಿಸಲಾಗಿದೆ? | ಪ್ರಸ್ತುತ ರಾಯಚೂರಿನ ಮಹಾತ್ಮ ಗಾಂಧಿ ಜಿಲ್ಲಾ ಕ್ರೀಡಾಂಗಣದ ಪುನರ್-ನಿರ್ಮಾಣ ಹಾಗೂ ಹೊಸ ಕ್ರೀಡಾ ಮೂಲಸೌಕರ್ಯಗಳ ಸೃಜನೆ ಕಾಮಗಾರಿಗಳು ಪ್ರಗತಿಯಲ್ಲಿದ್ದು, ಲಾನ್ ಟೆನ್ನಿಸ್, ಬಾಸ್ಕೆಟ್ ಬಾಲ್ ಅಂಕಣಗಳ ನಿರ್ಮಾಣ, ಒಳಾಂಗಣ ಕ್ರೀಡಾಂಗಣ ನಿರ್ಮಾಣ ಮತ್ತು ಈಜುಕೊಳ ನವೀಕರಣ ಕಾಮಗಾರಿಗಳು ಪ್ರಗತಿಯಲ್ಲಿದ್ದು, ಶೀಘ್ರ ಕ್ರೀಡಾಪಟುಗಳ ಬಳಕೆಗೆ ಮುಕ್ತಗೊಳಿಸಲಾಗುವುದು. |

**ವೈಎಸ್ ಡಿ-/ಇಬಿಬಿ/64/2020**

**(ಸಿ. ಟಿ. ರವಿ)**

ಪ್ರವಾಸೋದ್ಯಮ ಮತ್ತು ಕನ್ನಡ ಮತ್ತು ಸಂಸ್ಕೃತಿ
ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು.